ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಗುರುವಾರ, ದಿನಾಂಕ : 12 ನೇ ಮಾರ್ಚ್, 2020

ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ತ್ಯಾಜ್ಯ ವಿಲೇವಾರಿ ಬಗ್ಗೆ

ಶ್ರೀ ಕೆ.ಎ.ತಿಪ್ಪೇಸ್ವಾಮಿ (ನಾಮನಿರ್ದೇಶನ ಹೊಂದಿದವರು) :-

797 (992) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬೃಹತ್ ಬೆಂಗಳೂರು ಮಹಾನಗರ ಪಾಲಿಕೆಯ ವ್ಯಾಪ್ತಿಯಲ್ಲಿ ಪ್ರತಿ ನಿತ್ಯ ಎಷ್ಟು ಟನ್ ಕಸ ಸಂಗ್ರಹವಾಗುತ್ತಿದೆ; (ಮಾಹಿತಿ ನೀಡುವುದು)

(ಆ) ಈ ಸಂಗ್ರಹವಾಗುತ್ತಿರುವ ಕಸವನ್ನು ವೈಜ್ಞಾನಿಕವಾಗಿ ಎಲ್ಲಿ ವಿಲೇವಾರಿ ಮಾಡಲಾಗುತ್ತಿದೆ; ಎಷ್ಟು ಟನ್ ಕಸವನ್ನು ವಿಲೇವಾರಿ ಮಾಡಲಾಗುತ್ತಿದೆ;

(ಇ) ಎಲ್ಲಿ ಎಲ್ಲಿ ಡಂಪಿಂಗ್ ಯಾರ್ಡ್‌ಗಳಿವೆ; ಒಂದೊಂದು ಡಂಪಿಂಗ್ ಯಾರ್ಡ್‌ನಲ್ಲಿ ಎಷ್ಟು ಕಸವನ್ನು ವಿಲೇವಾರಿ ಮಾಡುವ ಸಾಮರ್ಥ್ಯವಿದೆ ಎಂಬ ಬಗ್ಗೆ ಸಂಪೂರ್ಣ ಮಾಹಿತಿ ನೀಡುವುದು;

(ಈ) ಸಂಗ್ರಹವಾಗುವ ಕಸ ವಿಲೇವಾರಿ ಮಾಡಲು ಪ್ರತಿ ವರ್ಷ ಖರ್ಚಾಗುತ್ತಿರುವ ಹಣವೆಷ್ಟು; (ವಿವರ ನೀಡುವುದು)

(ಉ) ಬೃಹತ್ ಬೆಂಗಳೂರು ಮಹಾನಗರ ಪಾಲಿಕೆಯು ವೈಜ್ಞಾನಿಕವಾಗಿ ಕಸ ವಿಲೇವಾರಿ ಮಾಡದಿರುವ ವೈಫಲ್ಯವನ್ನು ಮಾನ್ಯ ಉಚ್ಚ ನ್ಯಾಯಾಲಯವು ವಿಧಿಸಿರುವ ನಿರ್ಬಂಧದ ಎಚ್ಚರಿಕೆ ನೀಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಊ) ಬಂದಿದ್ದಲ್ಲಿ, ಸರ್ಕಾರ ತೆಗೆದುಕೊಂಡಿರುವ ಕ್ರಮವೇನು? (ವಿವರ ನೀಡುವುದು)